ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಗುರುವಾರ, ದಿನಾಂಕ : 24 ನೇ ಸೆಪ್ಟೆಂಬರ್, 2020

ರಾಜ್ಯದಲ್ಲಿ ವಶಪಡಿಸಿಕೊಂಡಿರುವ ಮಾದಕ ವಸ್ತುಗಳ ಜಿಲ್ಲಾವಾರು ವಿವರ ನೀಡುವುದು

ಶ್ರೀ ಆರ್. ಪ್ರಸನ್ನ ಕುಮಾರ್(ಸ್ಥಳೀಯ ಸಂಸ್ಥೆಗಳಿಂದ ಚುನಾಯಿತರಾದವರು) –

521 (592) ಮಾನ್ಯ ಗೃಹ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) 2015-16 ರಿಂದ 2019-20 ರವರೆಗೆ ರಾಜ್ಯದಲ್ಲಿ ವಶಪಡಿಸಿಕೊಂಡಿರುವ ಮಾದಕ ವಸ್ತುಗಳಾವುವು (ಡ್ರಗ್ಸ್) (ಜಿಲ್ಲಾವಾರು ವಿವರ ನೀಡುವುದು)

(ಆ) ಅಂಚೆ ಕಛೇರಿಯ ಖಾಸಗಿ ಕೊರಿಯರ್ಸ್ ಮತ್ತು ವಿಮಾನಯಾನದ ಮೂಲಕ ಡ್ರಗ್ಸ್ ಪಾರ್ಸಲ್ ಬರುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಎಷ್ಟು ಪ್ರಕರಣಗಳು ದಾಖಲಾಗಿವೆ; (ವಿವರ ನೀಡುವುದು)

(ಇ) ಮಾದಕ ವಸ್ತುಗಳ ಮಾರಾಟ ದಂಧೆಯಲ್ಲಿ ತೊಡಗಿರುವ ಅಂಚೆ ಅಧಿಕಾರಿಗಳು ಸೇರಿದಂತೆ ಬೇರೆ ಬೇರೆ ಅಧಿಕಾರಿಗಳು ಶಾಮೀಲಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕೈಗೊಂಡ ಕ್ರಮಗಳೇನು;

(ಈ) ಸರ್ಕಾರಿ / ಖಾಸಗಿ ಇಂಜಿನಿಯರಿಂಗ್, ಮೆಡಿಕಲ್ ಕಾಲೇಜು ಪದವಿ ಕಾಲೇಜುಗಳ ಕ್ಯಾಂಪಸ್‌ಗಳಲ್ಲಿ ಡ್ರಗ್ಸ್ ಬಳಕೆ ಮಾಡಲಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಇದುವರೆವಿಗೆ ಎಷ್ಟು ಕಡೆಗಳಲ್ಲಿ ಪ್ರಕರಣಗಳನ್ನು ದಾಖಲಿಸಲಾಗಿದೆ; (ವಿವರ ನೀಡುವುದು)

(ಉ) ಇತರೆ ಖಾಸಗಿ ಕಾಲೇಜು ಆಡಳಿತ ಮಂಡಳಿಗಳ ಮೇಲೆ ಏನು ಕ್ರಮ ಕೈಗೊಳ್ಳಲಾಗಿದೆ?